## ಆಯುಕ್ತರು, ರಾಜ್ಯ ಚುನಾವಣಾ ಆಯೋಗ, ಬೆಂಗಳೂರು

**ವಿಷಯ** : ರತ್ನಮ್ಮ ರವರು ತುಮಕೂರು ಜಿಲ್ಲೆ, ಕುಣಿಗಲ್ ತಾಲ್ಲೂಕು ಪಂಚಾಯತಿ ಸಾರ್ವತ್ರಿಕ ಚುನಾವಣೆ–2010 ರಲ್ಲಿ ಕುಣಿಗಲ್ ತಾಲ್ಲೂಕು ಪಂಚಾಯತಿ, 06–ಯಲಿಯೂರು ಚುನಾವಣಾ ಕ್ಷೇತ್ರದಿಂದ ಸ್ಪರ್ಧಿಸಿ ಚುನಾವಣಾ ವೆಚ್ಚದ ಲೆಕ್ಕ ವಿವರಗಳನ್ನು ಸಲ್ಲಿಸದಿರುವುದರಿಂದ ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಪ್ರಕಾರ ಅನರ್ಹಗೊಳಿಸುವ ಬಗ್ಗೆ.

**ಉಲ್ಲೇಖ** : 1) ಜಿಲ್ಲಾಧಿಕಾರಿಗಳು, ತುಮಕೂರು ಜಿಲ್ಲೆ ರವರ ಪತ್ರದ ಸಂಖ್ಯೆ: ಚು(2)ವಿವ.196/2010.11 ದಿನಾಂಕ: 07–07–2011

2) ಆಯೋಗದ ನೋಟೀಸು ಸಂಖ್ಯೆ: ರಾಚುಆ/183/ಟಿಜಿಡ್‌ಪಿ/2011, ದಿನಾಂಕ: 29–07–2011

3) ಜಿಲ್ಲಾಧಿಕಾರಿಗಳು, ತುಮಕೂರು ಜಿಲ್ಲೆ, ರವರ ಪತ್ರ ಸಂಖ್ಯೆ: ಚು(2)ವಿವ.196/2010.11 ದಿನಾಂಕ: 15–11–2011

**ಪ್ರಸ್ತಾವನೆ:**

ತುಮಕೂರು ಜಿಲ್ಲೆ, ಕುಣಿಗಲ್ ತಾಲ್ಲೂಕು ಪಂಚಾಯತಿ ಸದಸ್ಯ ಸ್ಥಾನಕ್ಕೆ 06–ಯಲಿಯೂರು ತಾಲ್ಲೂಕು ಪಂಚಾಯತಿ ಚುನಾವಣಾ ಕ್ಷೇತ್ರದಿಂದ ಸಾರ್ವತ್ರಿಕ ಚುನಾವಣೆ 2010ರಲ್ಲಿ ಸ್ಪರ್ಧಿಸಿದ್ದ (ಪ್ರಪತ್ರ–10 ರಂತೆ) ರತ್ನಮ್ಮ ರವರು ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308– ಬಿ ಹಾಗೂ ಕರ್ನಾಟಕ ಪಂಚಾಯತ್ ರಾಜ್ (ಚುನಾವಣೆಗೆ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ನಿಯಮಗಳು 2005ರ ನಿಯಮ 2 ಮತ್ತು ಕರ್ನಾಟಕ ಪಂಚಾಯತ್ ರಾಜ್ (ಜಿಲ್ಲಾ ಮತ್ತು ತಾಲ್ಲೂಕು ಪಂಚಾಯತಿ ಚುನಾವಣೆಗಳಲ್ಲಿ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ಆದೇಶ 2005ರ ಖಂಡ 3 ರ ಪ್ರಕಾರ, ಚುನಾವಣಾ ವೆಚ್ಚಗಳ ಲೆಕ್ಕ ಪತ್ರವನ್ನು ನಿಗದಿತ ನಮೂನೆಯಲ್ಲಿ ಚುನಾವಣಾ ಫಲಿತಾಂಶ ಘೋಷಿತವಾದ 30 ದಿನಗಳೊಳಗೆ ಸಲ್ಲಿಸಿರುವುದಿಲ್ಲವೆಂದು ತುಮಕೂರು ಜಿಲ್ಲೆಯ ಜಿಲ್ಲಾಧಿಕಾರಿಗಳು ಉಲ್ಲೇಖ(1) ರ ಪತ್ರದಲ್ಲಿ ವರದಿ ಮಾಡಿರುತ್ತಾರೆ.

ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಹಾಗೂ ಕರ್ನಾಟಕ ಪಂಚಾಯತ್ ರಾಜ್ (ಜಿಲ್ಲಾ ಮತ್ತು ತಾಲ್ಲೂಕು ಪಂಚಾಯತಿ ಚುನಾವಣೆಗಳಲ್ಲಿ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ಆದೇಶ 2005ರ ಖಂಡ 6 ರ ಉಪಖಂಡ 5ರನ್ವಯ ಆಯೋಗದಿಂದ ಉಲ್ಲೇಖ(2)ರ ದಿನಾಂಕ: 29–07–2011 ರ ನೋಟೀಸನ್ನು ನೀಡಿ ಅವರನ್ನು ಏಕೆ ಅನರ್ಹಗೊಳಿಸಬಾರದು ಎಂಬುದಕ್ಕೆ ನೋಟೀಸು ತಲುಪಿದ 15 ದಿನಗಳೊಳಗಾಗಿ ರಾಜ್ಯ ಚುನಾವಣಾ ಆಯೋಗಕ್ಕೆ ಕಾರಣಗಳನ್ನು ಸಲ್ಲಿಸತಕ್ಕದೆಂದು ತಿಳಿಸಲಾಗಿತ್ತು.

ಮೇಲ್ಕಂಡ ನೋಟೀಸನ್ನು ದಿನಾಂಕ: 06–08–2011 ರಂದು ರತ್ನಮ್ಮ ರವರಿಗೆ ಗ್ರಾಮಲೆಕ್ಕಿಗರು ಜಾರಿ ಮಾಡಿದ್ದು, ಜಿಲ್ಲಾಧಿಕಾರಿಗಳು ಜಾರಿಯಾದ ಪ್ರತಿಯನ್ನು ಆಯೋಗಕ್ಕೆ ಕಳುಹಿಸಿರುತ್ತಾರೆ. ಆದಾಗ್ಯೂ ಅಭ್ಯರ್ಥಿಯು ಆಯೋಗಕ್ಕೆ ಉತ್ತರವನ್ನು ನೀಡಿರುವುದಿಲ್ಲ. ಹಾಗೂ ಜಿಲ್ಲಾಧಿಕಾರಿಗಳು ಈ ವಿಷಯದಲ್ಲಿ ಪರಿಶೀಲಿಸಿ ಅಂತಿಮವಾಗಿ ಉಲ್ಲೇಖ(3) ರ ವರದಿಯಲ್ಲಿಯೂ ಸಹ ಸದರಿ ಅಭ್ಯರ್ಥಿಯು ಚುನಾವಣಾ ವೆಚ್ಚದ ಲೆಕ್ಕ ವಿವರಗಳನ್ನು ಸಲ್ಲಿಸಿರುವುದಿಲ್ಲವೆಂದು ತಿಳಿಸಿ ನಿಯಮಾನುಸಾರ ಸದರಿಯವರನ್ನು ಅನರ್ಹಗೊಳಿಸಬಹುದೆಂದು ಶಿಫಾರಸ್ಸು ಮಾಡಿರುತ್ತಾರೆ.

ಮೇಲ್ಕಂಡ ಅಂಶಗಳ ಹಿನ್ನಲೆಯಲ್ಲಿ ಈ ಪ್ರಕರಣಕ್ಕೆ ಸಂಬಂಧಿಸಿದ ದಾಖಲೆಗಳನ್ನು ಪರಿಶೀಲಿಸಲಾಗಿ ರತ್ನಮ್ಮ ರವರು ಚುನಾವಣಾ ವೆಚ್ಚದ ಲೆಕ್ಕ ಪತ್ರಗಳನ್ನು ಸಲ್ಲಿಸುವಲ್ಲಿ ವಿಫಲರಾಗಿದ್ದು, ಜಾರಿಯಾದ ನೋಟೀಸಿಗೆ ಸರಿಯಾದ ಕಾರಣ ಅಥವಾ ಸಮರ್ಥನೆಗಳನ್ನು ಒದಗಿಸಿಲ್ಲದಿರುವುದು ದೃಢಪಟ್ಟಿರುತ್ತದೆ. ಕಾರಣ ಈ ಕೆಳಕಂಡಂತೆ ಆದೇಶ.

**ಆದೇಶ ಸಂಖ್ಯೆ: ರಾಚುಆ/183(4)/ಟಿಜಿಡ್‌ಪಿ/2011, ಬೆಂಗಳೂರು ದಿನಾಂಕ: 06–12–2012**

ಮೇಲೆ ವಿವರಿಸಿರುವಂತೆ ಜಿಲ್ಲಾಧಿಕಾರಿಗಳ ವರದಿಯನ್ನು ಪರಿಶೀಲಿಸಿ ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 306 ರ ಪ್ರಕಾರ ನೋಟೀಸನ್ನು ಜಾರಿಮಾಡಿದಾಗ್ಯೂ ತುಮಕೂರು ಜಿಲ್ಲೆ ಕುಣಿಗಲ್ ತಾಲ್ಲೂಕು ಪಂಚಾಯತಿ ಸದಸ್ಯ ಸ್ಥಾನಕ್ಕೆ 06–ಯಲಿಯೂರು ತಾಲ್ಲೂಕು ಪಂಚಾಯತಿ ಚುನಾವಣಾ ಕ್ಷೇತ್ರದಿಂದ ಸಾರ್ವತ್ರಿಕ ಚುನಾವಣೆ 2010ರಲ್ಲಿ ಸ್ಪರ್ಧಿಸಿದ್ದ ರತ್ನಮ್ಮ ಇವರು ಆಯೋಗಕ್ಕೆ ವೆಚ್ಚದ ವಿವರಗಳನ್ನು ನೀಡುವಲ್ಲಿ ವಿಫಲರಾಗಿರುತ್ತಾರೆ ಹಾಗೂ ಚುನಾವಣಾ ವೆಚ್ಚದ ಲೆಕ್ಕ ಪತ್ರಗಳನ್ನು ಸಲ್ಲಿಸದೇ ಇರುವುದಕ್ಕೆ ಸರಿಯಾದ ಕಾರಣ ಅಥವಾ ಸಮರ್ಥನೆ ನೀಡಿಲ್ಲದಿರುವುದು ದೃಢಪಟ್ಟಿರುವುದರಿಂದ ರಾಜ್ಯ ಚುನಾವಣಾ ಆಯೋಗವು ರತ್ನಮ್ಮ ರವರನ್ನು ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಅನುಸಾರ ಈ ಆದೇಶದ ದಿನಾಂಕದಿಂದ ಆರು ವರ್ಷಗಳ ಅವಧಿಗೆ ಅನರ್ಹರೆಂದು ಘೋಷಿಸಿರುತ್ತದೆ.

**ಆಯುಕ್ತರು,**
**ರಾಜ್ಯ ಚುನಾವಣಾ ಆಯೋಗ.**

PR - 546

## ಆಯುಕ್ತರು, ರಾಜ್ಯ ಚುನಾವಣಾ ಆಯೋಗ, ಬೆಂಗಳೂರು

**ವಿಷಯ** : ಗೀತಾ ಎ.ಎನ್ ಕೋಂ ಬೋರೇಗೌಡ ರವರು ತುಮಕೂರು ಜಿಲ್ಲೆ, ಕುಣಿಗಲ್ ತಾಲ್ಲೂಕು ಪಂಚಾಯತಿ ಸಾರ್ವತ್ರಿಕ ಚುನಾವಣೆ–2010 ರಲ್ಲಿ ಕುಣಿಗಲ್ ತಾಲ್ಲೂಕು ಪಂಚಾಯತಿ, 07–ಕೆಂಪನಹಳ್ಳಿ ಚುನಾವಣಾ ಕ್ಷೇತ್ರದಿಂದ ಸ್ಪರ್ಧಿಸಿ ಚುನಾವಣಾ ವೆಚ್ಚದ ಲೆಕ್ಕ ವಿವರಗಳನ್ನು ಸಲ್ಲಿಸದಿರುವುದರಿಂದ ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಪ್ರಕಾರ ಅನರ್ಹಗೊಳಿಸುವ ಬಗ್ಗೆ.

**ಉಲ್ಲೇಖ** : 1) ಜಿಲ್ಲಾಧಿಕಾರಿಗಳು, ತುಮಕೂರು ಜಿಲ್ಲೆ ರವರ ಪತ್ರದ ಸಂಖ್ಯೆ: ಚು(2)ವಿವ.196/2010.11 ದಿನಾಂಕ: 07–07–2011

2) ಆಯೋಗದ ನೋಟೀಸು ಸಂಖ್ಯೆ: ರಾಚುಆ/183/ಟಿಜಿಡ್‌ಪಿ/2011, ದಿನಾಂಕ: 29–07–2011

3) ಜಿಲ್ಲಾಧಿಕಾರಿಗಳು, ತುಮಕೂರು ಜಿಲ್ಲೆ, ರವರ ಪತ್ರ ಸಂಖ್ಯೆ: ಚು(2)ವಿವ.196/2010.11 ದಿನಾಂಕ: 15–11–2011

**ಪ್ರಸ್ತಾವನೆ:**

ತುಮಕೂರು ಜಿಲ್ಲೆ, ಕುಣಿಗಲ್ ತಾಲ್ಲೂಕು ಪಂಚಾಯತಿ ಸದಸ್ಯ ಸ್ಥಾನಕ್ಕೆ 07–ಕೆಂಪನಹಳ್ಳಿ ತಾಲ್ಲೂಕು ಪಂಚಾಯತಿ ಚುನಾವಣಾ ಕ್ಷೇತ್ರದಿಂದ ಸಾರ್ವತ್ರಿಕ ಚುನಾವಣೆ 2010ರಲ್ಲಿ ಸ್ಪರ್ಧಿಸಿದ್ದ (ಪ್ರಪತ್ರ–10 ರಂತೆ) ಗೀತಾ ಎ.ಎನ್ ಕೋಂ ಬೋರೇಗೌಡ ರವರು ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308– ಬಿ ಹಾಗೂ ಕರ್ನಾಟಕ ಪಂಚಾಯತ್ ರಾಜ್ (ಚುನಾವಣೆಗೆ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ನಿಯಮಗಳು 2005ರ ನಿಯಮ 2 ಮತ್ತು ಕರ್ನಾಟಕ ಪಂಚಾಯತ್ ರಾಜ್ (ಜಿಲ್ಲಾ ಮತ್ತು ತಾಲ್ಲೂಕು ಪಂಚಾಯತಿ

ಚುನಾವಣೆಗಳಲ್ಲಿ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ಆದೇಶ 2005ರ ಖಂಡ 3 ರ ಪ್ರಕಾರ, ಚುನಾವಣಾ ವೆಚ್ಚಗಳ ಲೆಕ್ಕ ಪತ್ರವನ್ನು ನಿಗದಿತ ನಮೂನೆಯಲ್ಲಿ ಚುನಾವಣಾ ಫಲಿತಾಂಶ ಘೋಷಿತವಾದ 30 ದಿನಗಳೊಳಗೆ ಸಲ್ಲಿಸಿರುವುದಿಲ್ಲವೆಂದು ತುಮಕೂರು ಜಿಲ್ಲೆಯ ಜಿಲ್ಲಾಧಿಕಾರಿಗಳು ಉಲ್ಲೇಖ(1) ರ ಪತ್ರದಲ್ಲಿ ವರದಿ ಮಾಡಿರುತ್ತಾರೆ.

ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಹಾಗೂ ಕರ್ನಾಟಕ ಪಂಚಾಯತ್ ರಾಜ್ (ಜಿಲ್ಲಾ ಮತ್ತು ತಾಲ್ಲೂಕು ಪಂಚಾಯತಿ ಚುನಾವಣೆಗಳಲ್ಲಿ ಸ್ಪರ್ಧಿಸುವ ಅಭ್ಯರ್ಥಿಗಳ ವೆಚ್ಚ ಮಿತಿ) ಆದೇಶ 2005ರ ಖಂಡ 6 ರ ಉಪಖಂಡ 5ರನ್ವಯ ಆಯೋಗದಿಂದ ಉಲ್ಲೇಖ(2)ರ ದಿನಾಂಕ: 29–07–2011 ರ ನೋಟೀಸನ್ನು ನೀಡಿ ಅವರನ್ನು ಏಕೆ ಅನರ್ಹಗೊಳಿಸಬಾರದು ಎಂಬುದಕ್ಕೆ ನೋಟೀಸು ತಲುಪಿದ 15 ದಿನಗಳೊಳಗಾಗಿ ರಾಜ್ಯ ಚುನಾವಣಾ ಆಯೋಗಕ್ಕೆ ಕಾರಣಗಳನ್ನು ಸಲ್ಲಿಸತಕ್ಕದೆಂದು ತಿಳಿಸಲಾಗಿತ್ತು.

ಮೇಲ್ಕಂಡ ನೋಟೀಸನ್ನು ದಿನಾಂಕ: 09–08–2011 ರಂದು ಗೀತಾ ಎ.ಎನ್ ಕೋಂ ಬೋರೇಗೌಡ ರವರಿಗೆ ರಾಜಸ್ವ ನಿರೀಕ್ಷಕರು ಜಾರಿ ಮಾಡಿದ್ದು, ಜಿಲ್ಲಾಧಿಕಾರಿಗಳು ಜಾರಿಯಾದ ಪ್ರತಿಯನ್ನು ಆಯೋಗಕ್ಕೆ ಕಳುಹಿಸಿರುತ್ತಾರೆ. ಆದಾಗ್ಯೂ ಅಭ್ಯರ್ಥಿಯು ಆಯೋಗಕ್ಕೆ ಉತ್ತರವನ್ನು ನೀಡಿರುವುದಿಲ್ಲ. ಹಾಗೂ ಜಿಲ್ಲಾಧಿಕಾರಿಗಳು ಈ ವಿಷಯದಲ್ಲಿ ಪರಿಶೀಲಿಸಿ ಅಂತಿಮವಾಗಿ ಉಲ್ಲೇಖ(3) ರ ವರದಿಯಲ್ಲಿಯೂ ಸಹ ಸದರಿ ಅಭ್ಯರ್ಥಿಯು ಚುನಾವಣಾ ವೆಚ್ಚದ ಲೆಕ್ಕ ವಿವರಗಳನ್ನು ಸಲ್ಲಿಸಿರುವುದಿಲ್ಲವೆಂದು ತಿಳಿಸಿ ನಿಯಮಾನುಸಾರ ಸದರಿಯವರನ್ನು ಅನರ್ಹಗೊಳಿಸಬಹುದೆಂದು ಶಿಫಾರಸ್ಸು ಮಾಡಿರುತ್ತಾರೆ.

ಮೇಲ್ಕಂಡ ಅಂಶಗಳ ಹಿನ್ನಲೆಯಲ್ಲಿ ಈ ಪ್ರಕರಣಕ್ಕೆ ಸಂಬಂಧಿಸಿದ ದಾಖಲೆಗಳನ್ನು ಪರಿಶೀಲಿಸಲಾಗಿ ಗೀತಾ ಎ.ಎನ್ ಕೋಂ ಬೋರೇಗೌಡ ರವರು ಚುನಾವಣಾ ವೆಚ್ಚದ ಲೆಕ್ಕ ಪತ್ರಗಳನ್ನು ಸಲ್ಲಿಸುವಲ್ಲಿ ವಿಫಲರಾಗಿದ್ದು, ಜಾರಿಯಾದ ನೋಟೀಸಿಗೆ ಸರಿಯಾದ ಕಾರಣ ಅಥವಾ ಸಮರ್ಥನೆಗಳನ್ನು ಒದಗಿಸಿಲ್ಲದಿರುವುದು ದೃಢಪಟ್ಟಿರುತ್ತದೆ. ಕಾರಣ ಈ ಕೆಳಕಂಡಂತೆ ಆದೇಶ.

**ಆದೇಶ ಸಂಖ್ಯೆ: ರಾಚುಆ/183(5)/ಟಿಜಡ್‌ಪಿ/2011, ಬೆಂಗಳೂರು ದಿನಾಂಕ: 06–12–2012**

ಮೇಲೆ ವಿವರಿಸಿರುವಂತೆ ಜಿಲ್ಲಾಧಿಕಾರಿಗಳ ವರದಿಯನ್ನು ಪರಿಶೀಲಿಸಿ ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 306 ರ ಪ್ರಕಾರ ನೋಟೀಸನ್ನು ಜಾರಿಮಾಡಿದಾಗ್ಯೂ ತುಮಕೂರು ಜಿಲ್ಲೆ ಕುಣಿಗಲ್ ತಾಲ್ಲೂಕು ಪಂಚಾಯತಿ ಸದಸ್ಯ ಸ್ಥಾನಕ್ಕೆ 07–ಕೆಂಪನಹಳ್ಳಿ ತಾಲ್ಲೂಕು ಪಂಚಾಯತಿ ಚುನಾವಣಾ ಕ್ಷೇತ್ರದಿಂದ ಸಾರ್ವತ್ರಿಕ ಚುನಾವಣೆ 2010ರಲ್ಲಿ ಸ್ಪರ್ಧಿಸಿದ್ದ ಗೀತಾ ಎ.ಎನ್ ಕೋಂ ಬೋರೇಗೌಡ ಇವರು ಆಯೋಗಕ್ಕೆ ವೆಚ್ಚದ ವಿವರಗಳನ್ನು ನೀಡುವಲ್ಲಿ ವಿಫಲರಾಗಿರುತ್ತಾರೆ ಹಾಗೂ ಚುನಾವಣಾ ವೆಚ್ಚದ ಲೆಕ್ಕ ಪತ್ರಗಳನ್ನು ಸಲ್ಲಿಸದೇ ಇರುವುದಕ್ಕೆ ಸರಿಯಾದ ಕಾರಣ ಅಥವಾ ಸಮರ್ಥನೆ ನೀಡಿಲ್ಲದಿರುವುದು ದೃಢಪಟ್ಟಿರುವುದರಿಂದ ರಾಜ್ಯ ಚುನಾವಣಾ ಆಯೋಗವು ಗೀತಾ ಎ.ಎನ್ ಕೋಂ ಬೋರೇಗೌಡ ರವರನ್ನು ಕರ್ನಾಟಕ ಪಂಚಾಯತ್ ರಾಜ್ ಅಧಿನಿಯಮ 1993 ರ ಪ್ರಕರಣ 308–ಸಿ ಅನುಸಾರ ಈ ಆದೇಶದ ದಿನಾಂಕದಿಂದ ಆರು ವರ್ಷಗಳ ಅವಧಿಗೆ ಅನರ್ಹರೆಂದು ಘೋಷಿಸಿರುತ್ತದೆ.

**ಆಯುಕ್ತರು,**

PR - 547

**ರಾಜ್ಯ ಚುನಾವಣಾ ಆಯೋಗ.**

**IN THE COURT OF HON'BLE CJ & JMFC, RAMANAGARA RAMANAGARA DISTRICT,**

**Date: 12-03-2013**

Its here by notified to the public. That Ramanagar town police station, Ramanagar district have seized the following vehicle a unclaimed and such vehicles are lying in the police station as unclaimed so far hence the owner of the vehicles may put their claim one month from the date this notification.

IN THE COURT OF HON'BLE
CJ & JMFC, RAMANAGARA

| SL. NO. | C MISS NO | P F NO | REG NO | MAKE | CHASSIS NO | ENGINE NO. |
|---|---|---|---|---|---|---|
| 01 | 523/12 | 78/12 | KA-01X3867 | Bajaj Platinum | MD2DDDZZZNWD03296 | DUMBND08679 |
| 02 | 523/12 | 78/12 | KA-05, EU1582 | Hero Honda Splendor | 04K16704029 | 04K15E03346 |
| 03 | 276/11 | 26/11 | KA-06 V-564 | Yamaha Libiro | 0365TS055025 | 5TS055025 |
| 04 | 523/12 | 78/12 | KA-41 E-4531 | TVS XL Heavy duty | MD621BD1092D23756 | 0D1D91869352 |
| 05 | 296/11 | 29/11 | KA-01 ED-302 | Bajaj Platinum | MD2DDDZZZNW748368 | DUMBNF60910 |
| 06 | 278/11 | 27/11 | KA-04 E-2751 | TVS GLX | MD625DF4071D98676 | 0F4D71214745 |
| 07 | 284/11 | 28/11 | KA-09 ED-3459 | Hero Honda Splendor plus | 00M20712172 | 00M18E11436 |
| 08 | 523/12 | 78/12 | NO Number | Active Honda | ME4JF085C28043630 | JF08E0049544 |
| 09 | 523/12 | 78/12 | NO Number | Appache | MD624HE3172A110614 | 0E3A72111690 |

IN THE COURT OF HON'BLE
CJ & JMFC, RAMANAGARA

P.R. 1330